# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 30ನೇ ಜೂನ್, 2014
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ**

**ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ**

### 2. ಚುನಾವಣಾ ಪ್ರಸ್ತಾವ

**ಶ್ರೀ ಟಿ.ಬಿ. ಜಯಚಂದ್ರ (ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳು,ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ, ಮತ್ತು ಪಶುಸಂಗೋಪನೆ) ಅವರು:-**

1992 ಇಸವಿಯ ಕರ್ನಾಟಕ ರಾಜ್ಯ ಮುಕ್ತ ವಿಶ್ವವಿದ್ಯಾಲಯದ ಅಧಿನಿಯಮ 18(1) (8)ರ ಪ್ರಕಾರ ಏಕಲ ಸಂಕ್ರಮಣೀಯ ಮತದ ಮೂಲಕ ಅನುಪಾತ ಪ್ರಾತಿನಿಧ್ಯದ ನೀತಿಗೆ ಅನುಸಾರವಾಗಿ ಈ ಸಭೆಯು ಕರ್ನಾಟಕ ರಾಜ್ಯ ಮುಕ್ತ ವಿಶ್ವವಿದ್ಯಾನಿಲಯ ವ್ಯವಸ್ಥಾಪನಾ ಮಂಡಳಿಗೆ ಇಬ್ಬರು ಸದಸ್ಯರನ್ನು ಚುನಾಯಿಸಬೇಕೆಂದು ಸೂಚಿಸುವುದು.

### 3.ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ಮುಂದುವರೆದ ಚರ್ಚೆ.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 07 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |

*ಪು.ತಿ.ನೋ.,*

## 4. ಶಾಸನ ರಚನೆ

### I. ವಿಧೇಯಕಗಳನ್ನು ಮಂಡಿಸುವುದು.

**1. ಕರ್ನಾಟಕ ರಾಜ್ಯ ಹಿಂದುಳಿದ ವರ್ಗಗಳ ಆಯೋಗ (ತಿದ್ದುಪಡಿ) ವಿಧೇಯಕ, 2014**
**ಶ್ರೀ ಹೆಚ್. ಆಂಜನೇಯ (ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು) ಅವರು:-**

ಅ) 2014ನೇ ಸಾಲಿನ ಕರ್ನಾಟಕ ರಾಜ್ಯ ಹಿಂದುಳಿದ ವರ್ಗಗಳ ಆಯೋಗ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಕರ್ನಾಟಕ ಸಕಾಲ ಸೇವೆಗಳು (ತಿದ್ದುಪಡಿ) ವಿಧೇಯಕ, 2014**
**ಶ್ರೀ ಸಿದ್ಧರಾಮಯ್ಯ (ಮುಖ್ಯಮಂತ್ರಿ) ಅವರು:-**

ಅ) 2014ನೇ ಸಾಲಿನ ಕರ್ನಾಟಕ ಸಕಾಲ ಸೇವೆಗಳು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## 5. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು ಆನೆಕಾರಿಡಾರ್ ಸ್ಥಾಪನೆ ಮತ್ತು ಬೆಳೆಪರಿಹಾರ ಮೊತ್ತವನ್ನು ಪರಿಷ್ಕರಿಸುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

2. ಶ್ರೀ ಹೆಚ್.ಡಿ. ರೇವಣ್ಣ ಅವರು ಹಾಸನ ತಾಲ್ಲೂಕು ಮೊಸಳೆಹೊಸಳ್ಳಿ, ಚನ್ನರಾಯಪಟ್ಟಣ ತಾಲ್ಲೂಕು ಉದಯಪುರ ಮತ್ತು ಹೊಳೆನರಸೀಪುರ ತಾಲ್ಲೂಕು ಹರಿಹರಪುರಗಳಲ್ಲಿರುವ ಸರ್ಕಾರಿ ಐ.ಟಿ.ಐ. ಕಾಲೇಜುಗಳಿಗೆ ಸರ್ಕಾರದಿಂದ ಜಮೀನು ಮಂಜೂರಾಗಿದ್ದರೂ ಕಟ್ಟಡ ನಿರ್ಮಿಸದೇ ಇರುವ ಬಗ್ಗೆ ಮಾನ್ಯ ಕಾರ್ಮಿಕ ಸಚಿವರ ಗಮನ ಸೆಳೆಯುವುದು.

3. ಶ್ರೀಯುತರುಗಳಾದ ವಿಶ್ವೇಶ್ವರ ಹೆಗಡೆ ಕಾಗೇರಿ, ಎಂ.ಪಿ. ಅಪ್ಪಚ್ಚುರಂಜನ್ ಹಾಗೂ ಡಿ.ಎನ್. ಜೀವರಾಜ್ ಅವರುಗಳು ಕರ್ನಾಟಕ ರಾಜ್ಯ ಕರಕುಶಲ ಅಭಿವೃದ್ಧಿ ನಿಗಮದಲ್ಲಿ ನೊಂದಣಿಯಾಗಿರುವ ಶ್ರೀಗಂಧ ಕೆತ್ತನೆಯ ಕುಶಲಕರ್ಮಿಗಳಿಗೆ ಅರಣ್ಯ ಇಲಾಖೆಯಿಂದ ಶ್ರೀಗಂಧ ಸರಬರಾಜು ಮಾಡಲು ಹಾಗೂ ಅಗತ್ಯ ಸಬ್ಸಿಡಿಯನ್ನು ಒದಗಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

*ಪು.ತಿ.ನೋ.,*

4. ಶ್ರೀ ಗುರುಪಾದಪ್ಪ ನಾಗಮಾರಪಳ್ಳಿ ಅವರು ಬೀದರ್ ಜಿಲ್ಲೆಯಲ್ಲಿ ಬರಗಾಲ ಪರಿಸ್ಥಿತಿಯುಂಟಾಗಿರುವುದರಿಂದ ಬರಪರಿಹಾರ ಕಾಮಗಾರಿಗಳನ್ನು ಕೈಗೊಳ್ಳುವುದರ ಜೊತೆಗೆ ಕುಡಿಯುವ ನೀರಿನ ವ್ಯವಸ್ಥೆ ಹಾಗೂ ಜಾನುವಾರುಗಳಿಗೆ ಮೇವಿನ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

5. ಶ್ರೀ ಪಿ.ಆರ್. ಸುಧಾಕರ್ ಲಾಲ್ ಅವರು ಕೊರಟಗೆರೆ ವಿಧಾನಸಭಾ ಕ್ಷೇತ್ರದಲ್ಲಿರುವ ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳಲ್ಲಿ ಮೂಲಭೂತ ಸೌಕರ್ಯಗಳ ಕೊರತೆಯಿಂದ ಹಾಗೂ ಐ.ಇ.ಆರ್.ಟಿ. ಶಿಕ್ಷಕರ ನೇಮಕಾತಿಯಾಗದೆ ಅಲ್ಲಿನ ವಿದ್ಯಾರ್ಥಿಗಳಿಗೆ ತೊಂದರೆಯುಂಟಾಗುತ್ತಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ರಾಜ್ಯ ಸಚಿವರ ಗಮನ ಸೆಳೆಯುವುದು.

6. ಶ್ರೀ ವಿ. ಸುನೀಲ ಕುಮಾರ್ ಅವರು ಮಣಿಪಾಲ ಆಸ್ಪತ್ರೆಯಲ್ಲಿ ರಾಜ್ಯ ಸರ್ಕಾರ ಜಾರಿಗೆ ತಂದಿರುವ ವಾಜಪೇಯಿ ಆರೋಗ್ಯಶ್ರೀ ಯೋಜನೆಯಡಿ ಕ್ಯಾನ್ಸರ್ ರೋಗಕ್ಕೆ ಚಿಕಿತ್ಸೆ ಪಡೆಯಲು ಅವಕಾಶವಿಲ್ಲದಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

7. ಶ್ರೀ ಕೆ.ಎಸ್. ಮಂಜುನಾಥಗೌಡ ಅವರು ಮಾಲೂರು ಪುರಸಭೆಯ ವ್ಯಾಪ್ತಿಯಲ್ಲಿ ಕಸ ವಿಲೇವಾರಿ ಮಾಡಲು ಜಮೀನು ಒದಗಿಸುವ ಮತ್ತು ಪುರಸಭೆಯಲ್ಲಿ ಸಿಬ್ಬಂದಿಗಳ ಕೊರತೆಯಿಂದ ಉಂಟಾಗಿರುವ ತೊಂದರೆಯ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

8. ಶ್ರೀ ಬಿ.ಬಿ. ನಿಂಗಯ್ಯ ಅವರು ಬೆಂಗಳೂರು-ಮಂಗಳೂರು ರಾಷ್ಟ್ರೀಯ ಹೆದ್ದಾರಿಯ ಶಿರಾಡಿ ಘಾಟ್ ರಸ್ತೆಯಲ್ಲಿ ಅಪಘಾತಗಳು ಹೆಚ್ಚಾಗುತ್ತಿರುವುದರಿಂದ ಬದಲಿ ರಸ್ತೆ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

ಶ್ರೀ ಹ್ಯಾರಿಸ್ ಎನ್.ಎ ಅವರು "ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿನ ಸುವ್ಯವಸ್ಥಿತ ಶಾಶ್ವತ ಕಸ ವಿಲೇವಾರಿ" ಬಗ್ಗೆ ದಿನಾಂಕ 24.06.2014ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಎರಡನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 18(256)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)